ಸದನದಲ್ಲಿ ಉತ್ತರಿಸುವ ಪ್ರಶ್ನೆ



ಕರ್ನಾಟಕ ವಿಧಾನ ಪರಿಷತ್ತು

ನೂರ ನಲವತ್ತೊಂದನೆಯ ಅಧಿವೇಶನ

ಸೋಮವಾರ, ದಿನಾಂಕ : 21 ನೇ ಸೆಪ್ಟೆಂಬರ್, 2020

ಸಂಸ್ಕೃತ ವಿಶ್ವವಿದ್ಯಾಲಯದ ಬಗ್ಗೆ

ಶ್ರೀ ಅ. ದೇವೇಗೌಡ(ಪದವೀಧರರ ಕ್ಷೇತ್ರ) –

04 (160) ಉಪ ಮುಖ್ಯಮಂತ್ರಿಗಳು ಹಾಗೂ ಉನ್ನತ ಶಿಕ್ಷಣ, ಮಾಹಿತಿ ತಂತ್ರಜ್ಞಾನ, ಮತ್ತು ಜೈವಿಕ ತಂತ್ರಜ್ಞಾನ ಹಾಗೂ ವಿಜ್ಞಾನ ಮತ್ತು ತಂತ್ರಜ್ಞಾನ, ಕೌಶಲ್ಯಾಭಿವೃದ್ಧಿ, ಉದ್ಯಮಶೀಲತೆ ಮತ್ತು ಜೀವನೋಪಾಯ ಸಚಿವರು ಈ ವಿಷಯಗಳನ್ನು ದಯವಿಟ್ಟು ತಿಳಿಸುವರೆ –

(ಅ) ರಾಜ್ಯದಲ್ಲಿ ಕರ್ನಾಟಕ ಸಂಸ್ಕೃತ ವಿಶ್ವವಿದ್ಯಾಲಯ ಸ್ಥಾಪನೆಯಾಗಿ ಹತ್ತು ವರ್ಷಗಳು ಕಳೆದಿದ್ದರೂ, ಈ ವಿಶ್ವವಿದ್ಯಾಲಯಕ್ಕೆ ರಾಮನಗರ ಜಿಲ್ಲೆ, ಮಾಗಡಿ ತಾಲ್ಲೂಕಿನ ತಿಪ್ಪಸಂದ್ರ ಹೋಬಳಿಯಲ್ಲಿ ಸರ್ಕಾರದಿಂದ 100 ಎಕರೆ ಜಮೀನು ಎಂಟು ವರ್ಷಗಳ ಹಿಂದೆಯೇ ಮಂಜೂರಾಗಿದ್ದು, ಸಂಸ್ಕೃತ ವಿಶ್ವವಿದ್ಯಾಲಯದ ಕಟ್ಟಡ ನಿರ್ಮಾಣ ಮಾಡುವ ಬಗ್ಗೆ ಈವರೆವಿಗೂ ಯಾವುದೇ ಕ್ರಮ ಕೈಗೊಂಡಿರುವುದಿಲ್ಲವೇಕೆ;

(ಆ) ಇದರಿಂದಾಗಿ ಶೈಕ್ಷಣಿಕ ಚಟುವಟಿಕೆಗಳು ಕುಂಠಿತವಾಗಿರುವುದಿಲ್ಲವೆ; ಸದರಿ ಸಂಸ್ಕೃತ ವಿಶ್ವವಿದ್ಯಾಲಯದ ಕಟ್ಟಡ ನಿರ್ಮಾಣಕ್ಕೆ ಸರ್ಕಾರವು ಶೀಘ್ರವಾಗಿ ಅನುದಾನ ಬಿಡುಗಡೆ ಮಾಡಿ ಕಟ್ಟಡ ನಿರ್ಮಿಸಲು ಮುಂದಾಗುವುದೇ?